ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 06 ನೇ ಮಾರ್ಚ್, 2020

ಬೀದರ್ ಜಿಲ್ಲೆಯಲ್ಲಿ ಗ್ರಾಮೀಣ ಕುಡಿಯುವ ನೀರಿನ ಸಮಸ್ಯೆ ಕುರಿತು

ಶ್ರೀ ವಿಜಯ ಸಿಂಗ್ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

361 (450) ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಬೀದರ್ ಜಿಲ್ಲೆಯಲ್ಲಿ ಕುಡಿಯುವ ನೀರಿನ ಸಮಸ್ಯೆಯಿಂದ ಜನ ಸಾಮಾನ್ಯರು ಹಾಗೂ ದನ ಕರುಗಳು ತೊಂದರೆ ಅನುಭವಿಸುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಬೀದರ್ ಜಿಲ್ಲೆಯ ಕುಡಿಯುವ ನೀರಿನ ಸಮಸ್ಯೆಯನ್ನು ನಿವಾರಿಸಲು ಸರ್ಕಾರ ಕೈಗೊಂಡ ಕ್ರಮಗಳೇನು;

(ಇ) 2018-2019ನೇ ಸಾಲಿನಲ್ಲಿ ಕುಡಿಯುವ ನೀರಿನ ಸಮಸ್ಯೆಯನ್ನು ನಿವಾರಿಸಲು ಸರ್ಕಾರ ನೀಡಿದ ಅನುದಾನ ಎಷ್ಟು; ಪ್ರಸಕ್ತ ಸಾಲಿನಲ್ಲಿ ಸಮಸ್ಯೆಯನ್ನು ನಿವಾರಿಸಲು ಸರ್ಕಾರ ನೀಡಿದ ಅನುದಾನ ಎಷ್ಟು ? (ತಾಲ್ಲೂಕುವಾರು ವಿವರ ನೀಡುವುದು)